# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | : | 1658 |
| ಮಾನ್ಯ ಸದಸ್ಯರ ಹೆಸರು | : | ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) |
| ವಿಷಯ | : | ರಾಜ್ಯದ ಪ್ರವಾಸಿ ತಾಣಗಳ ಸಮಸ್ಯೆಗಳ ಬಗ್ಗೆ. |
| ಉತ್ತರಿಸುವ ದಿನಾಂಕ | : | 20/03/2020 |
| ಉತ್ತರಿಸುವ ಸಚಿವರು | : | ಪ್ರವಾಸೋದ್ಯಮ, ಕನ್ನಡ ಮತ್ತು ಸಂಸ್ಕೃತಿ ಹಾಗೂ ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು. |

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದಲ್ಲಿ ಪ್ರವಾಸೋದ್ಯಮದ ಅಭಿವೃದ್ಧಿಗೆ ಸಾಕಷ್ಟು ಅವಕಾಶಗಳಿದ್ದು, ಅದರ ಸದ್ಬಳಕೆ ಇಲ್ಲದೇ ಯಾತ್ರಾರ್ಥಿಗಳು ಹಲವಾರು ಸಮಸ್ಯೆಗಳನ್ನೆದುರಿಸುತ್ತಿದ್ದು, ರಾಜ್ಯದ ಬೊಕ್ಕಸಕ್ಕೂ ಉತ್ಪನ್ನ ಬರದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ರಾಜ್ಯದಲ್ಲಿ ಪ್ರವಾಸೋದ್ಯಮ ಅಭಿವೃದ್ಧಿಗೆ ಸಾಕಷ್ಟು ಅವಕಾಶಗಳಿರುವುದು ಹಾಗೂ ಯಾತ್ರಾರ್ಥಿಗಳು ಪ್ರವಾಸಿ ತಾಣಗಳಿಗೆ ಭೇಟಿ ನೀಡಿದಾಗ ಎದುರಿಸುತ್ತಿರುವ ಸಮಸ್ಯೆಗಳು ಸರ್ಕಾರದ ಗಮನಕ್ಕೆ ಬಂದಿದ್ದು, ರಾಜ್ಯದ ಪ್ರವಾಸೋದ್ಯಮವನ್ನು ಸಮಗ್ರವಾಗಿ ಅಭಿವೃದ್ಧಿಪಡಿಸುವ ನಿಟ್ಟಿನಲ್ಲಿ ಪ್ರವಾಸೋದ್ಯಮ ನೀತಿ 2015-20ರ ಅಡಿಯಲ್ಲಿ 319 ಪ್ರವಾಸಿ ತಾಣಗಳನ್ನು ಗುರುತಿಸಿದೆ. ಅನುದಾನದ ಲಭ್ಯತೆಗೆ ಅನುಗುಣವಾಗಿ ಈ ಪ್ರವಾಸಿ ತಾಣಗಳು ಸೇರಿದಂತೆ ಜಿಲ್ಲಾಧಿಕಾರಿಗಳು ಹಾಗೂ ಜಿಲ್ಲಾ ಪ್ರವಾಸೋದ್ಯಮ ಅಭಿವೃದ್ಧಿ ಸಮಿತಿ, ಜನ ಪ್ರತಿನಿಧಿಗಳು ಹಾಗೂ ಸಂಘ ಸಂಸ್ಥೆಗಳ ಪ್ರಸ್ತಾವನೆಗಳನ್ನು ಪರಿಗಣಿಸಿ ಪ್ರವಾಸಿಗರಿಗೆ ಅನುಕೂಲಗಳನ್ನು ಕಲ್ಪಿಸಲಾಗುತ್ತಿದೆ.<br><br>ಪ್ರವಾಸೋದ್ಯಮದ ಅಭಿವೃದ್ಧಿಯಿಂದಾಗಿ ರಾಜ್ಯಕ್ಕೆ ಹೆಚ್ಚು ಸಂಖ್ಯೆಯ ಪ್ರವಾಸಿಗರು ಭೇಟಿ ನೀಡುವುದರಿಂದ ಉದ್ಯೋಗವಕಾಶಗಳು ಹೆಚ್ಚಾಗುವುದರೊಂದಿಗೆ ರಾಜ್ಯದ ಬೊಕ್ಕಸಕ್ಕೆ ಪರೋಕ್ಷವಾಗಿ ಉತ್ಪನ್ನವು ಬರುತ್ತದೆ. |
| ಆ) | ಉತ್ತರ ಕರ್ನಾಟಕದ ಬಹುಮುಖ್ಯ ಪ್ರವಾಸಿ ತಾಣಗಳಾದ ವಿಜಯಪುರದಲ್ಲಿರುವ ಗೋಲ್ ಗುಂಬಜ್‌ದಂತಹ ಅದ್ಭುತವಾದ ಪ್ರೇಕ್ಷಣೀಯ ಸ್ಥಳಕ್ಕೆ ಹೊರದೇಶದಿಂದ ಬಂದ ಪ್ರವಾಸಿಗರಿಗೆ ಬೆಂಗಳೂರಿನಿಂದ ಪ್ರಯಾಣ ಬೆಳೆಸಲು ಹಾಗೂ ಉಳಿದುಕೊಳ್ಳಲು ಒಳ್ಳೆಯ ವಸತಿ ಗೃಹಗಳ ಅನಾನುಕೂಲತೆ ಇರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಹೌದು.<br><br>ಉತ್ತರ ಕರ್ನಾಟಕದ ಪ್ರಮುಖ ಪ್ರವಾಸಿ ತಾಣವಾದ ವಿಜಯಪುರದಲ್ಲಿ ರೂ.1635.95ಲಕ್ಷಗಳ ಅಂದಾಜು ವೆಚ್ಚದಲ್ಲಿ ತ್ರಿ ಸ್ಟಾರ್ ಹೋಟೆಲ್ ಸೌಲಭ್ಯವನ್ನು ಕಲ್ಪಿಸಲು ಕ್ರಮ ಕೈಗೊಳ್ಳಲಾಗುತ್ತಿದೆ. |
| ಇ) | ಬೆಳಗಾವಿ ಜಿಲ್ಲೆಯ ಸವದತ್ತಿ ತಾಲ್ಲೂಕಿನ ಶ್ರೀ ರೇಣುಕಾ ಯಲ್ಲಮ್ಮ ದೇವಾಲಯಕ್ಕೆ ಅಸಂಖ್ಯಾತ ಪ್ರವಾಸಿಗರು ಬರುತ್ತಿದ್ದು, ಮೂಲಭೂತ ಸೌಕರ್ಯಗಳ ಹಾಗೂ ಶುಚಿತ್ವದ ಕೊರತೆಯಿಂದ ಜನ ಸಾಮಾನ್ಯರು ತೊಂದರೆಗೊಳಗಾಗುತ್ತಿದ್ದು, ಇದರ ಸುಧಾರಣೆಗೆ ಸರ್ಕಾರ ತೆಗೆದುಕೊಂಡ ಕ್ರಮವೇನು? | ಬೆಳಗಾವಿ ಜಿಲ್ಲೆಯ ಸವದತ್ತಿ ತಾಲ್ಲೂಕಿನ ಶ್ರೀ ರೇಣುಕಾ ಯಲ್ಲಮ್ಮ ದೇವಾಲಯದ ಬಳಿ ಯಾತ್ರಾರ್ಥಿಗಳ ಅನುಕೂಲಕ್ಕಾಗಿ ಡಾರ್ಮಿಟರಿಗಳು, ವಾಹನ ನಿಲ್ದಾಣ, ಶೌಚಾಲಯಗಳು, ಕುಡಿಯುವ ನೀರಿನ ಸೌಲಭ್ಯ ಕಾಮಗಾರಿಗಳನ್ನು ರೂ.1885.00 ಲಕ್ಷಗಳ ಅಂದಾಜು ವೆಚ್ಚದಲ್ಲಿ ಕೈಗೊಳ್ಳಲಾಗುತ್ತಿದೆ. |
| ಈ) | ಬಾಗಲಕೋಟೆ ಜಿಲ್ಲೆಯ ಬಾದಾಮಿ, ಬನಶಂಕರಿ, ಐಹೊಳೆ, ಪಟ್ಟದ ಕಲ್ಲುಗಳಂತಹ ಜಗತ್ಪ್ರಸಿದ್ಧ ಪ್ರವಾಸೀ ತಾಣಗಳಿಗೆ ಹೋಗಿ ಬರಲು ಹಾಗೂ ಉಳಿದುಕೊಳ್ಳಲು ಒಳ್ಳೆ ಸಾರಿಗೆ ಹಾಗೂ ವಾಸ್ತವ್ಯಕ್ಕೆ ಕೊರತೆ ಇರುವುದರಿಂದ ನಿರೀಕ್ಷಿತ ಮಟ್ಟದಲ್ಲಿ ಅಭಿವೃದ್ಧಿಯಾಗದೇ ಸರ್ಕಾರಕ್ಕೆ ಆದಾಯವೂ ಕಡಿಮೆಯಾಗಿದ್ದು, ಇದರ ಸುಧಾರಣೆಗೆ ಸರ್ಕಾರ ಯಾವ ಕ್ರಮ ಕೈಗೊಂಡಿದೆ? | ಉತ್ತರ ಕರ್ನಾಟಕದ ಪ್ರಮುಖ ಪ್ರವಾಸಿ ತಾಣಗಳಾದ ಬಾದಾಮಿ, ಪಟ್ಟದಕಲ್ಲು ಹಾಗೂ ಐಹೊಳೆಯಂತಹ ಪ್ರಮುಖ ಪ್ರವಾಸಿ ತಾಣಗಳಲ್ಲಿ ಹೊರ ದೇಶಗಳಿಂದ ಹಾಗೂ ಬೆಂಗಳೂರಿನಿಂದ ಬರುವ ಪ್ರವಾಸಿಗರಿಗೆ ಉಳಿದುಕೊಳ್ಳಲು ಬಾದಾಮಿಯಲ್ಲಿ ರೂ.1766.53 ಲಕ್ಷಗಳ ಅಂದಾಜು ವೆಚ್ಚದಲ್ಲಿ ತ್ರಿ ಸ್ಟಾರ್ ಹೋಟೆಲ್ ಸೌಲಭ್ಯವನ್ನು ಕಲ್ಪಿಸಲು ಕ್ರಮ ಕೈಗೊಳ್ಳಲಾಗುತ್ತಿದೆ. |

ಕಡತ ಸಂಖ್ಯೆ: ಟಿಓಆರ್ 116 ಟಿಡಿವಿ 2020

(ಸಿ.ಟಿ.ರವಿ)
ಪ್ರವಾಸೋದ್ಯಮ, ಕನ್ನಡ ಮತ್ತು ಸಂಸ್ಕೃತಿ ಹಾಗೂ
ಯುವ ಸಬಲೀಕರಣ ಮತ್ತು ಕ್ರೀಡಾ ಸಚಿವರು.